# ಕರ್ನಾಟಕ ವಿಧಾನಸಭೆ

(15ನೇ ವಿಧಾನಸಭೆ)
ಹತ್ತನೇ ಅಧಿವೇಶನ

## ಕಾರ್ಯಕಲಾಪಗಳ ಪಟ್ಟಿ

ಮಂಗಳವಾರ, ದಿನಾಂಕ 21ನೇ ಸೆಪ್ಟೆಂಬರ್, 2021
(ಸಮಯ: ಬೆಳಿಗ್ಗೆ 11.00 ಗಂಟೆಗೆ)

----

## 1. ಪ್ರಶ್ನೋತ್ತರ

ಅ) ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು : ಏಳನೇ ಪಟ್ಟಿ

ಆ) ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳು : ಏಳನೇ ಪಟ್ಟಿ

## 2. ವರದಿಗಳನ್ನೊಪ್ಪಿಸುವುದು

1) **ಶ್ರೀ ಕೆ. ರಘುಪತಿ ಭಟ್** (ಅಧ್ಯಕ್ಷರು, ಸರ್ಕಾರಿ ಭರವಸೆಗಳ ಸಮಿತಿ) ಅವರು ಕರ್ನಾಟಕ ವಿಧಾನ ಸಭೆಯ ಸರ್ಕಾರಿ ಭರವಸೆಗಳ ಸಮಿತಿಯ 2020-21ನೇ ಸಾಲಿನ ಹತ್ತು ಮತ್ತು ಹನ್ನೊಂದನೇ ವರದಿಗಳನ್ನೊಪ್ಪಿಸುವುದು.

2) **ಶ್ರೀ ಎಸ್. ಕುಮಾರ ಬಂಗಾರಪ್ಪ** (ಅಧ್ಯಕ್ಷರು, ಅಧೀನ ಶಾಸನ ರಚನಾ ಸಮಿತಿ) ಅವರು ಕರ್ನಾಟಕ ವಿಧಾನ ಮಂಡಲದ ಅಧೀನ ಶಾಸನ ರಚನಾ ಸಮಿತಿಯ 2020-21ನೇ ಸಾಲಿನ ಐವತ್ತೊಂದನೇ ವರದಿಯನ್ನೊಪ್ಪಿಸುವುದು.

## 3. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯಗಳ ಬಗ್ಗೆ ಅಲ್ಪ ಕಾಲಾವಧಿ ಚರ್ಚೆ

1) **ಶ್ರೀಯುತರುಗಳಾದ ಹೆಚ್.ಡಿ. ರೇವಣ್ಣ, ಹೆಚ್.ಡಿ. ಕುಮಾರ ಸ್ವಾಮಿ, ಸಿ.ಎನ್. ಬಾಲಕೃಷ್ಣ, ಸಿ.ಎಸ್. ಪುಟ್ಟರಾಜು ಹಾಗೂ ಕೆ.ಎಸ್. ಲಿಂಗೇಶ್** – ರಾಜ್ಯದಲ್ಲಿ ಪ್ರಗತಿ ಹಂತದಲ್ಲಿರುವ ವಿವಿಧ ಇಲಾಖೆಗಳ ಕಾಮಗಾರಿಗಳನ್ನು ಅನುಷ್ಠಾನಗೊಳಿಸಲು ಆದೇಶವನ್ನು ಹೊರಡಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

2) **ಶ್ರೀಯುತರುಗಳಾದ ಸಿದ್ದರಾಮಯ್ಯ, ಕೆ.ಆರ್. ರಮೇಶ್ ಕುಮಾರ್, ಕೃಷ್ಣ ಬೈರೇಗೌಡ, ಡಿ.ಕೆ. ಶಿವಕುಮಾರ್, ಹೆಚ್.ಕೆ. ಪಾಟೀಲ್ ಹಾಗೂ ಶ್ರೀಮತಿ ಸೌಮ್ಯ ರೆಡ್ಡಿ –** ಮೈಸೂರಿನ ಚಾಮುಂಡಿಪುರದ ರಿಂಗ್ ರಸ್ತೆ ಪ್ರದೇಶದಲ್ಲಿ ಸಾಮೂಹಿಕ ಅತ್ಯಾಚಾರಕ್ಕೆ ಒಳಗಾದ ಸಂತ್ರಸ್ಥೆಯನ್ನು ಸರ್ಕಾರಿ ಆಸ್ಪತ್ರೆಗೆ ದಾಖಲಿಸದೆ, ಸಾಂತ್ವನ ಕೇಂದ್ರಕ್ಕೆ ಕರೆದೊಯ್ಯದೆ ಆಕೆಯ ಹೇಳಿಕೆಯನ್ನು ದಾಖಲಿಸಿಕೊಳ್ಳದಿರುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

3) **ಶ್ರೀಯುತರುಗಳಾದ ಸಿದ್ದರಾಮಯ್ಯ, ಡಾ. ಅಜಯ್ ಧರ್ಮಸಿಂಗ್, ಪಿಯಾಂಕ ಖರ್ಗೆ, ಬಸನಗೌಡ ದದ್ದಲ್, ಜೆ.ಎನ್. ಗಣೇಶ್ ಹಾಗೂ ಇತರರು –** ಕಲ್ಯಾಣ ಕರ್ನಾಟಕದ ಶೈಕ್ಷಣಿಕ, ಸಾಮಾಜಿಕ, ಆರೋಗ್ಯ, ಆರ್ಥಿಕ ಹಾಗೂ ಇನ್ನಿತರೆ ಅಭಿವೃದ್ಧಿ ವಿಚಾರಗಳ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

4) **ಶ್ರೀಯುತರುಗಳಾದ ಹೆಚ್.ಕೆ. ಕುಮಾರಸ್ವಾಮಿ, ಹೆಚ್.ಡಿ. ಕುಮಾರ ಸ್ವಾಮಿ, ಹೆಚ್.ಡಿ. ರೇವಣ್ಣ, ಸಿ.ಎಸ್. ಪುಟ್ಟರಾಜು, ಕೆ.ಎಸ್. ಲಿಂಗೇಶ್ ಹಾಗೂ ಇತರರು –** ರಾಜ್ಯದಲ್ಲಿ ಮುಂಗಾರಿನಲ್ಲಿ ಬಿದ್ದ ಮಳೆಯಿಂದಾಗಿ ರೈತರು ಬೆಳೆದ ಬೆಳೆಗಳಿಗೆ ಹಾಗೂ ಸಾರ್ವಜನಿಕ ಆಸ್ತಿ ಪಾಸ್ತಿಗಳಿಗೆ ಹಾನಿಯುಂಟಾಗಿರುವುದರಿಂದ ಪರಿಹಾರವನ್ನು ವಿತರಿಸುವ ಬಗ್ಗೆ ಪ್ರಸ್ತಾಪಿಸಲು ನೀಡಿರುವ ಸೂಚನೆಯ ಮೇಲೆ ಚರ್ಚೆ.

## 4. ಶಾಸನ ರಚನೆ

### ವಿಧೇಯಕವನ್ನು ಪರ್ಯಾಲೋಚಿಸುವುದು ಮತ್ತು ಅಂಗೀಕರಿಸುವುದು

**1. ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಪಟ್ಟಣ ಮತ್ತು ಗ್ರಾಮಾಂತರ ಯೋಜನೆ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**2. ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಸರಕು ಮತ್ತು ಸೇವೆಗಳ ತೆರಿಗೆ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

.. 3/ ..

**3. ಶ್ರೀ ಬಸವರಾಜ ಬೊಮ್ಮಾಯಿ (ಮಾನ್ಯ ಮುಖ್ಯಮಂತ್ರಿಗಳು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಧಾರ್ಮಿಕ ಕಟ್ಟಡಗಳ (ಸಂರಕ್ಷಣೆ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**4. ಶ್ರೀ ಆರಗ ಜ್ಞಾನೇಂದ್ರ (ಮಾನ್ಯ ಗೃಹ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಪೋಲೀಸು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**5. ಶ್ರೀ ಎನ್. ನಾಗರಾಜು ಎಂ.ಟಿ.ಬಿ. (ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರು) ಅವರು:–**

ಅ) 2021ನೇ ಕರ್ನಾಟಕ ಖಾದಿ ಮತ್ತು ಗ್ರಾಮೋದ್ಯೋಗಗಳ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**6. ಶ್ರೀ ಎನ್. ನಾಗರಾಜು ಎಂ.ಟಿ.ಬಿ. (ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ವಲಯ ಉದ್ಯಮಗಳ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ಪೌರಸಭೆಗಳು ಮತ್ತು ಕೆಲವು ಇತರ ಕಾನೂನು (ಎರಡನೇ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**7. ಶ್ರೀ ಬಿ.ಸಿ. ನಾಗೇಶ್ (ಮಾನ್ಯ ಪ್ರಾಥಮಿಕ ಮತ್ತು ಪ್ರೌಢಶಿಕ್ಷಣ ಹಾಗೂ ಸಕಾಲ ಸಚಿವರು) ಅವರು:–**

ಅ) 2021ನೇ ಸಾಲಿನ ಕರ್ನಾಟಕ ರಾಜ್ಯ ಸಿವಿಲ್ ಸೇವೆಗಳು (ಶಿಕ್ಷಕರ ವರ್ಗಾವಣೆ ನಿಯಂತ್ರಣ) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

**8. ಡಾ. ಸಿ.ಎನ್. ಅಶ್ವಥ್ ನಾರಾಯಣ (ಮಾನ್ಯ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ ಮತ್ತು ಜೈವಿಕ ತಂತ್ರಜ್ಞಾನ, ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲಾಭಿವೃದ್ಧಿ ಸಚಿವರು) ಅವರು:–**

ಅ) 2021ನೇ ಸಾಲಿನ ಚಾಣಕ್ಯ ವಿಶ್ವವಿದ್ಯಾಲಯ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;

ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

## 5. ಗಮನ ಸೆಳೆಯುವ ಸೂಚನೆಗಳು

1) **ಶ್ರೀ ಪ್ರಿಯಾಂಕ ಖರ್ಗೆ ಅವರು** – ಚಿತ್ತಾಪುರ ಪುರಸಭೆ ವ್ಯಾಪ್ತಿಯಲ್ಲಿ ಬರುವ ಪರಿಶಿಷ್ಟ ಜಾತಿ ಮತ್ತು ಪರಿಶಿಷ್ಟ ಪಂಗಡಗಳ ಜನ ವಸತಿ ಪ್ರದೇಶಗಳಲ್ಲಿ ಮೂಲಭೂತ ಸೌಕರ್ಯಗಳನ್ನು ಅಭಿವೃದ್ಧಿಪಡಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

2) **ಶ್ರೀ ರಿಜ್ವಾನ್ ಅರ್ಷದ್ ಅವರು** – ಶಿವಾನಂದ ವೃತ್ತದಲ್ಲಿ ನಿರ್ಮಾಣ ಹಂತದಲ್ಲಿರುವ ಗ್ರೇಡ್ ಸಪರೇಟರ್ ಕಾಮಗಾರಿಯ ವಿಳಂಬದಿಂದ ಜನಸಾಮಾನ್ಯರಿಗೆ ಉಂಟಾಗುತ್ತಿರುವ ತೊಂದರೆಯ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

3) **ಡಾ. ಯತೀಂದ್ರ ಸಿದ್ದರಾಮಯ್ಯ ಅವರು** – ಡಾ. ಬಿ.ಆರ್. ಅಂಬೇಡ್ಕರ್ ಅಭಿವೃದ್ಧಿ ನಿಗಮ ಮತ್ತು ಕರ್ನಾಟಕ ಆದಿ ಜಾಂಬವ ಅಭಿವೃದ್ಧಿ ನಿಗಮಗಳಿಂದ ವಿವಿಧ ಸೌಲಭ್ಯವನ್ನು ನೀಡಲು ನಿಗದಿಪಡಿಸಿರುವ ಗುರಿಯಲ್ಲಿನ ವ್ಯತ್ಯಾಸವನ್ನು ಸರಿಪಡಿಸುವ ಬಗ್ಗೆ ಮಾನ್ಯ ಸಮಾಜ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರ ಗಮನ ಸೆಳೆಯುವುದು.

4) **ಶ್ರೀ ನಿಸರ್ಗ ನಾರಾಯಣ ಸ್ವಾಮಿ ಎಲ್.ಎನ್. ಅವರು** – ದೇವನಹಳ್ಳಿ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ವಿಜಯಪುರ ಮತ್ತು ತೂಬಗೆರೆ ಪ್ರಾಥಮಿಕ ಆರೋಗ್ಯ ಕೇಂದ್ರಗಳನ್ನು ಮೂಲಭೂತ ಸೌಲಭ್ಯಗಳೊಂದಿಗೆ ಮೇಲ್ದರ್ಜೆಗೇರಿಸುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

5) **ಶ್ರೀ ಹೆಚ್.ಪಿ. ಮಂಜುನಾಥ್ ಮತ್ತು ಅನಿಲ್ ಚಿಕ್ಕಮಾದು ಅವರುಗಳು** – ನಾಗರಹೊಳೆ ಹಾಗೂ ಬಂಡೀಪುರ ರಾಷ್ಟ್ರೀಯ ಉದ್ಯಾನವನಗಳ ಕಾಡಂಚಿನ ಪ್ರದೇಶಗಳಲ್ಲಿ ಆನೆಗಳ ದಾಳಿಯನ್ನು ತಡೆಗಟ್ಟಲು ರೈಲ್ವೆ ಬ್ಯಾರಿಕೇಟ್ ಅಳವಡಿಸುವ ಕಾರ್ಯಕ್ರಮವನ್ನು ಸ್ಥಗಿತಗೊಳಿಸಿರುವ ಬಗ್ಗೆ ಮಾನ್ಯ ಅರಣ್ಯ ಹಾಗೂ ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

6) **ಶ್ರೀ ಎಸ್. ರಾಮಪ್ಪ ಅವರು** – ಹರಿಹರ ವಿಧಾನಸಭಾ ಕ್ಷೇತ್ರ ವ್ಯಾಪ್ತಿಯ ಭೈರನಪಾದ ಏತ ನೀರಾವರಿ ಯೋಜನೆಯ ಕಾಮಗಾರಿಗೆ ತಡೆಹಿಡಿದಿರುವ ಅನುದಾನವನ್ನು ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

7) **ಶ್ರೀ ಶಿವಾನಂದ ಪಾಟೀಲ ಅವರು** – ರಾಜ್ಯದ ರೈತರಿಗೆ ಪತ್ತಿನ ಸಹಕಾರಿ ಸಂಘಗಳ ಮೂಲಕ ಕೃಷಿ ಸಾಲಗಳ ವಿತರಣೆ ಮೇಲೆ ಪತ್ತಿನ ಸಂಸ್ಥೆಗಳಿಗೆ ಬಡ್ಡಿ ಸಹಾಯಧನ ದರ ನಿಗದಿಪಡಿಸಿ ಹೊರಡಿಸಿರುವ ಆದೇಶವನ್ನು ಮರುಪರಿಶೀಲಿಸಿ, ಬ್ಯಾಂಕುಗಳಿಗೆ ಮಾರ್ಜಿನ್ ಹೆಚ್ಚಿಸುವ ಬಗ್ಗೆ ಮಾನ್ಯ ಸಹಕಾರ ಸಚಿವರ ಗಮನ ಸೆಳೆಯುವುದು.

8) **ಶ್ರೀ ಉಮಾನಾಥ್ ಎ. ಕೋಟ್ಯಾನ್ ಅವರು –** ರಾಜ್ಯದ ತುಳು ಭಾಷೆಯನ್ನು ಸಂವಿಧಾನದ ಎಂಟನೇ ಪರಿಚ್ಛೇದದಲ್ಲಿ ಸೇರಿಸಲು ಕೇಂದ್ರ ಸರ್ಕಾರಕ್ಕೆ ಒತ್ತಡ ಮಾಡುವ ಮೂಲಕ ತುಳು ಭಾಷೆಯನ್ನು ರಾಜ್ಯದ ಅಧಿಕೃತ ಭಾಷೆಯನ್ನಾಗಿ ಘೋಷಿಸಲು ಸಕಾಲಿಕ ಕ್ರಮಗಳನ್ನು ಕೈಗೊಳ್ಳುವ ಬಗ್ಗೆ ಮಾನ್ಯ ಇಂಧನ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರ ಗಮನ ಸೆಳೆಯುವುದು.

9) **ಡಾ. ಹೆಚ್.ಡಿ. ರಂಗನಾಥ್ ಅವರು –** ತುಮಕೂರು ಶಾಖಾ ನಾಲೆಯಿಂದ ಕುಣಿಗಲ್‌ಗೆ ನಿಗದಿಯಾಗಿರುವ ಪ್ರಮಾಣದಲ್ಲಿ ನೀರು ಲಭ್ಯವಾಗದೆ ಈ ಭಾಗದ ಜನ–ಜಾನುವಾರುಗಳಿಗೆ ಕುಡಿಯಲು, ಬಡ ರೈತರ ಕೃಷಿ ಚಟುವಟಿಕೆಗಳಿಗೆ ನೀರಿನ ಅಭಾವ ಉಂಟಾಗಿರುವುದರಿಂದ ಫೀಡರ್ ಲಿಂಕ್ ಕೆನಾಲ್/ಪೈಪ್‌ಲೈನ್ ಕಾಮಗಾರಿಯನ್ನು ತುರ್ತಾಗಿ ಪೂರ್ಣಗೊಳಿಸುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

10) **ಶ್ರೀ ಎನ್. ಹೆಚ್. ಶಿವಶಂಕರ ರೆಡ್ಡಿ ಅವರು –** ಕರ್ನಾಟಕ ರಾಜ್ಯದ ಕೃಷಿ, ತೋಟಗಾರಿಕೆ, ಪಶುಸಂಗೋಪನೆ ವಿಶ್ವವಿದ್ಯಾಲಯಗಳಲ್ಲಿ ನಿವೃತ್ತ ಬೋಧಕರಿಗೆ ನೀಡುವ ನಿವೃತ್ತಿ ವೇತನ ಹಾಗೂ ನಿಧನ ಹೊಂದಿದ ಬೋಧಕರ ಕುಟುಂಬದವರಿಗೆ ನೀಡುವ ಕುಟುಂಬ ನಿವೃತ್ತಿ ವೇತನದಲ್ಲಿ ಆಗುತ್ತಿರುವ ತಾರತಮ್ಯವನ್ನು ಸರಿಪಡಿಸುವ ಬಗ್ಗೆ ಮಾನ್ಯ ಕೃಷಿ ಸಚಿವರ ಗಮನ ಸೆಳೆಯುವುದು.

11) **ಶ್ರೀ ಎಂ.ಬಿ. ಪಾಟೀಲ ಅವರು –** ಶ್ರೀ ರಾಘವೇಂದ್ರ ಔರಾದ್‌ಕರ್ ವರದಿಯಿಂದ ರಾಜ್ಯದ ಪೊಲೀಸ್ ಇಲಾಖೆಯ ಸಿಬ್ಬಂದಿಗಳಿಗೆ ಅನ್ಯಾಯವಾಗಿರುವ ಬಗ್ಗೆ ಮಾನ್ಯ ಗೃಹ ಸಚಿವರ ಗಮನ ಸೆಳೆಯುವುದು.

12) **ಡಾ. ಅಂಜಲಿ ಹೇಮಂತ್ ನಿಂಬಾಳ್ಕರ್ ಅವರು –** ಕರ್ನಾಟಕ ಅಲ್ಪಸಂಖ್ಯಾತರ ಅಭಿವೃದ್ಧಿ ನಿಗಮದಿಂದ ಅರಿವು ಯೋಜನೆಯಡಿ ಅಲ್ಪಸಂಖ್ಯಾತ ವಿದ್ಯಾರ್ಥಿಗಳಿಗೆ ಮಂಜೂರು ಮಾಡಲಾಗುತ್ತಿದ್ದ ಶೈಕ್ಷಣಿಕ ಸಾಲವನ್ನು ಸ್ಥಗಿತಗೊಳಿಸಿರುವುದರಿಂದ ವಿದ್ಯಾರ್ಥಿಗಳು ಉನ್ನತ ಶಿಕ್ಷಣದಿಂದ ವಂಚಿತರಾಗುತ್ತಿರುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

13) **ಶ್ರೀ ಕೆ.ಆರ್. ರಮೇಶ್ ಕುಮಾರ್ ಅವರು –** ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆಯಲ್ಲಿ ಗುತ್ತಿಗೆ ಆಧಾರದ ಮೇಲೆ ಕಾರ್ಯನಿರ್ವಹಿಸುತ್ತಿರುವ ಶುಶ್ರೂಷಕರಿಗೆ ಆದ್ಯತೆ ನೀಡಿ ಆಯ್ಕೆ ಮಾಡುವ ಸೌಲಭ್ಯವನ್ನು ಬಿ.ಬಿ.ಎಂ.ಪಿ. ಆಶ್ರಯದಲ್ಲಿ ಕಾರ್ಯನಿರ್ವಹಿಸಿ, ಉದ್ಯೋಗಕ್ಕಾಗಿ ಅರ್ಜಿಗಳನ್ನು ಸಲ್ಲಿಸಿರುವ ಶುಶ್ರೂಷಕರಿಗೂ ಸಹ ಅನ್ವಯಿಸುವಂತೆ ಪ್ರತ್ಯೇಕ ವ್ಯವಸ್ಥೆ ಮಾಡುವ ಬಗ್ಗೆ ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ವೈದ್ಯಕೀಯ ಶಿಕ್ಷಣ ಸಚಿವರ ಗಮನ ಸೆಳೆಯುವುದು.

14) **ಶ್ರೀ ಯು.ಟಿ. ಅಬ್ದುಲ್ ಖಾದರ್ ಅವರು –** ದಕ್ಷಿಣ ಕನ್ನಡ ಜಿಲ್ಲೆಯ ಕಾರ್ಪೊರೇಟ್ ಸಂಸ್ಥೆಗಳಲ್ಲಿ ಕಬ್ಬಡ್ಡಿ ಕ್ರೀಡಾ ಪಟುಗಳಿಗೆ ನಿರ್ದಿಷ್ಟ ಉದ್ಯೋಗಗಳನ್ನು ಕಾಯ್ದಿರಿಸಲು ಕ್ರಮ ಕೈಗೊಳ್ಳುವ ಬಗ್ಗೆ ಮಾನ್ಯ ರೇಷ್ಮೆ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರ ಗಮನ ಸೆಳೆಯುವುದು.

.. 6/ ..

15) **ಶ್ರೀ ದೊಡ್ಡಗೌಡರ ಮಹಾಂತೇಶ್ ಬಸವಂತರಾಯ್ ಅವರು** – ಕಿತ್ತೂರು ವಿಧಾನಸಭಾ ಕ್ಷೇತ್ರ ವ್ಯಾಪ್ತಿಯಲ್ಲಿ ಭೀಕರ ಮಳೆ ಮತ್ತು ಪ್ರವಾಹದಿಂದ ಹಾಳಾದ ಪ್ರಾಥಮಿಕ ಮತ್ತು ಪ್ರೌಢಶಾಲೆಗಳ ಕೊಠಡಿಗಳ ಮರು ನಿರ್ಮಾಣಕ್ಕೆ ಬೆಳಗಾವಿ ಜಿಲ್ಲಾಧಿಕಾರಿಗಳ ಪಿ.ಡಿ. ಖಾತೆಯಲ್ಲಿರುವ ಎನ್.ಡಿ.ಆರ್.ಎಫ್./ಎಸ್.ಡಿ.ಆರ್.ಎಫ್. ಅನುದಾನವನ್ನು ಬಳಕೆ ಮಾಡಲು ಅನುಮತಿ ನೀಡುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

16) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಗಣಿ ಮತ್ತು ಭೂ ವಿಜ್ಞಾನದಲ್ಲಿ ಭಾರಿ ಪ್ರಮಾಣದಲ್ಲಿ ತೆರಿಗೆ ಹಣ ಸೋರಿಕೆಯಾಗುತ್ತಿರುವ ಬಗ್ಗೆ ಮಾನ್ಯ ಗಣಿ ಮತ್ತು ಭೂ ವಿಜ್ಞಾನ ಹಾಗೂ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರೀಕರ ಸಬಲೀಕರಣ ಸಚಿವರ ಗಮನ ಸೆಳೆಯುವುದು.

17) **ಶ್ರೀ ಯಶವಂತರಾಯಗೌಡ ವಿಠ್ಠಲಗೌಡ ಪಾಟೀಲ್ ಅವರು** – ರಾಜ್ಯದಲ್ಲಿ ಟಿ.ವಿ., ಫ್ರಿಜ್, ದ್ವಿಚಕ್ರ ವಾಹನ ಕುಟುಂಬಗಳ ಪಡಿತರ ಚೀಟಿಯನ್ನು ರದ್ದು ಮಾಡುವುದಾಗಿ ದೃಶ್ಯ ಹಾಗೂ ಮುದ್ರಣ ಮಾಧ್ಯಮಗಳಲ್ಲಿ ಪ್ರಸಾರವಾಗುತ್ತಿರುವ ಬಗ್ಗೆ ಹಾಗೂ ಮಾನ್ಯ ಅರಣ್ಯ ಹಾಗೂ ಆಹಾರ, ನಾಗರೀಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಸಚಿವರ ಗಮನ ಸೆಳೆಯುವುದು.

18) **ಶ್ರೀ ಹೆಚ್.ಡಿ. ರೇವಣ್ಣ ಅವರು** – ಹಾಸನ ಜಿಲ್ಲೆ ಹರದನಹಳ್ಳಿ ಗ್ರಾಮದಲ್ಲಿ ಸಮುದಾಯ ಭವನ ಕಟ್ಟಡ ನಿರ್ಮಾಣ ಕಾಮಗಾರಿಗೆ ಅನುದಾನ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಮುಖ್ಯಮಂತ್ರಿಯವರ ಗಮನ ಸೆಳೆಯುವುದು.

19) **ಶ್ರೀಯುತರುಗಳಾದ ಸಿದ್ದರಾಮಯ್ಯ, ಅಮರೇಗೌಡ ಎಲ್. ಪಾಟೀಲ್ ಬಯ್ಯಾಪುರ, ಬಸನಗೌಡ ತುರುವಿಹಾಳ್ ಹಾಗೂ ಇತರರು** – ರಾಯಚೂರು ಜಿಲ್ಲೆಯ ಬರಪೀಡಿತ ತಾಲ್ಲೂಕುಗಳಾದ ಮಸ್ಕಿ, ಮಾನ್ವಿ, ದೇವದುರ್ಗ, ಲಿಂಗಸುಗೂರು, ಸಿಂಧನೂರು, ರಾಯಚೂರು ಮತ್ತು ಸಿರವಾರ ಭಾಗದ ಜನರ ಬದುಕನ್ನು ಸುಧಾರಿಸಲು ತುರ್ತಾಗಿ ಎನ್.ಆರ್.ಬಿ.ಸಿ.–5ಎ ಯೋಜನೆಯನ್ನು ಕೈಗೆತ್ತಿಕೊಳ್ಳಲು ಹಣ ಬಿಡುಗಡೆ ಮಾಡುವ ಬಗ್ಗೆ ಮಾನ್ಯ ಜಲಸಂಪನ್ಮೂಲ ಸಚಿವರ ಗಮನ ಸೆಳೆಯುವುದು.

20) **ಶ್ರೀ ಕೆ.ಎಸ್. ಲಿಂಗೇಶ್ ಅವರು** – ಹೈಬ್ರಿಡ್–ಜರ್ಸಿ ತಳಿಯ ಕರುಗಳನ್ನು ಸಾಕಲು ರೈತರಿಗೆ ಆರ್ಥಿಕ ಹೊರೆಯಾಗುತ್ತಿರುವುದರಿಂದ ಗೋ ಕಾಯ್ದೆಯನ್ನು ಮರು ಪರಾಮರ್ಶಿಸಿ ದೇಸಿ ಕರುಗಳಿಗೆ ಮಾತ್ರ ಸೀಮಿತವಾಗುವಂತೆ ಮಾಡುವ ಬಗ್ಗೆ ಹಾಗೂ ತಾಲ್ಲೂಕಿಗೆ ಒಂದರಂತೆ ಗೋ ಶಾಲೆ ತೆರೆಯುವ ಬಗ್ಗೆ ಮಾನ್ಯ ಕಂದಾಯ ಸಚಿವರ ಗಮನ ಸೆಳೆಯುವುದು.

21) **ಶ್ರೀ ದಿನಕರ ಕೇಶವ ಶೆಟ್ಟಿ ಅವರು** – ವಿದ್ಯಾರ್ಥಿಗಳ ಹಿತದೃಷ್ಟಿಯಿಂದ ಉತ್ತರ ಕನ್ನಡ ಜಿಲ್ಲೆಗೆ ವಿಶ್ವವಿದ್ಯಾಲಯವನ್ನು ಮಂಜೂರು ಮಾಡುವ ಬಗ್ಗೆ ಮಾನ್ಯ ಉನ್ನತ ಶಿಕ್ಷಣ ಸಚಿವರ ಗಮನ ಸೆಳೆಯುವುದು.

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

1) **ಶ್ರೀ ಕೆ. ಅನ್ನದಾನಿ ಅವರು** – ಮಂಡ್ಯ ಸಕ್ಕರೆ ಕಾರ್ಖಾನೆಯನ್ನು ಖಾಸಗೀಕರಣಗೊಳಿಸುವುದನ್ನು ಸ್ಥಗಿತಗೊಳಿಸಿ ಸರ್ಕಾರಿ ಸ್ವಾಮ್ಯದ ಒಡೆತನದಲ್ಲಿಯೇ ಮುಂದುವರೆಸುವ ಬಗ್ಗೆ ದಿನಾಂಕ:14.09.2021ರ ಶೂನ್ಯವೇಳೆಯಲ್ಲಿ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ

ಹಾಗೂ

**ಶ್ರೀ ಜೆ.ಎನ್. ಗಣೇಶ್ ಅವರು** – ಕಂಪ್ಲಿ ನಗರದಲ್ಲಿರುವ ಸಕ್ಕರೆ ಕಾರ್ಖಾನೆಯ ಕಾರ್ಯಾಚರಣೆ ಸ್ಥಗಿತಗೊಂಡಿರುವ ಬಗ್ಗೆ ದಿನಾಂಕ:17.09.2021ರಂದು ಐದನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 65(871)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

2) **ಶ್ರೀ ಎ.ಟಿ. ರಾಮಸ್ವಾಮಿ ಅವರು** – ಭಾರಿ ಪ್ರಮಾಣದ ಸರ್ಕಾರಿ ಜಮೀನುಗಳು ಸುಳ್ಳು ದಾಖಲೆಗಳ ಮೂಲಕ ಭೂಗಳ್ಳರ ಪಾಲಾಗುತ್ತಿರುವ ಬಗ್ಗೆ ದಿನಾಂಕ: 15.09.2021ರ ಗಮನ ಸೆಳೆಯುವ ಸೂಚನೆಗೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

3) **ಶ್ರೀ ಜೆ.ಎನ್. ಗಣೇಶ್ ಅವರು** – ಪರಿಶಿಷ್ಟ ಪಂಗಡಕ್ಕೆ ಮೀಸಲಾತಿಯನ್ನು ಘೋಷಣೆ ಮಾಡುವುದಕ್ಕೆ ಸಂಬಂಧಿಸಿದಂತೆ ನಿವೃತ್ತ ನ್ಯಾಯಮೂರ್ತಿ ನೇತೃತ್ವದ ತ್ರಿಸದಸ್ಯ ಸಮಿತಿ ರಚನೆ ಮಾಡಿರುವ ಬಗ್ಗೆ ದಿನಾಂಕ: 15.09.2021ರ ಗಮನ ಸೆಳೆಯುವ ಸೂಚನೆಗೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

4) **ಶ್ರೀ ಶರತ್ ಕುಮಾರ್ ಬಚ್ಚೇಗೌಡ ಅವರು** – "ಪ್ರಧಾನ ಮಂತ್ರಿ ಅವಾಸ್ ಯೋಜನೆ"ಯ ಬಗ್ಗೆ ದಿನಾಂಕ: 20.09.2021ರ ಆರನೇ ಪಟ್ಟಿಯಲ್ಲಿನ ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ 85(1507)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧ ಗಂಟೆ ಕಾಲ ಚರ್ಚಿಸುವುದು.

ಎಂ.ಕೆ. ವಿಶಾಲಾಕ್ಷಿ
ಕಾರ್ಯದರ್ಶಿ(ಪ್ರ)

**ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.**
http://kla.kar.nic.in/assembly/lob/lob.htm